ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಬುಧವಾರ, ದಿನಾಂಕ: 17ನೇ ಜುಲೈ, 2019

ಬರಪೀಡಿತ ಪ್ರದೇಶಗಳೆಂದು ಘೋಷಿಸಲಾದ ತಾಲ್ಲೂಕುಗಳ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

208 (372) ಮಾನ್ಯ ಕಂದಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) 2019-20ನೇ ಸಾಲಿನ ಹಿಂಗಾರು ಹಂಗಾಮಿಗೆ ರಾಜ್ಯದ ಎಷ್ಟು ತಾಲ್ಲೂಕುಗಳನ್ನು ಬರಪೀಡಿತ ಪ್ರದೇಶಗಳೆಂದು ಘೋಷಿಸಲಾಗಿದೆ; (ಜಿಲ್ಲಾವಾರು ಮಾಹಿತಿಯನ್ನು ನೀಡುವುದು)

(ಆ) ಘೋಷಣೆ ಮಾಡಿರುವ ಬರ ಪೀಡಿತ ತಾಲ್ಲೂಕುಗಳಿಗೆ ಎಷ್ಟು ಅನುದಾನವನ್ನು ಬಿಡುಗಡೆ ಮಾಡಲಾಗಿದೆ; (ಜಿಲ್ಲಾವಾರು ಮಾಹಿತಿ ನೀಡುವುದು)

(ಇ) ಬರ ಪೀಡಿತ ತಾಲ್ಲೂಕುಗಳಲ್ಲಿ ಬಿಡುಗಡೆ ಮಾಡಿದ ಅನುದಾನದಲ್ಲಿ ಕೈಗೊಂಡಿರುವ ಕಾರ್ಯಕ್ರಮಗಳಾವುದು ಹಾಗೆಯೇ ತುಮಕೂರು ಜಿಲ್ಲೆಯ ಯಾವ ಯಾವ ತಾಲ್ಲೂಕುಗಳಿಗೆ ಎಷ್ಟು ಅನುದಾನವನ್ನು ಬಿಡುಗಡೆ ಮಾಡಿದೆ; (ವಿವರ ಒದಗಿಸುವುದು)

(ಈ) ಜಾನುವಾರುಗಳಿಗೆ ಮೇವು ನೀರಿನ ವ್ಯವಸ್ಥೆ ಮಾಡಲು ಮಂಡ್ಯ ಜಿಲ್ಲೆಯಲ್ಲಿ ಯಾವ ಯಾವ ತಾಲ್ಲೂಕುಗಳನ್ನು ಆಯ್ಕೆ ಮಾಡಿಕೊಳ್ಳಲಾಗಿದೆ ಹಾಗೂ ಅಲ್ಲಿ ಕೈಗೊಂಡಿರುವ ಕ್ರಮಗಳೇನು? (ವಿವರ ನೀಡುವುದು)